


# ಕರ್ನಾಟಕ ವಿಧಾನಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## ಚುಕ್ಕೆ ಗುರುತಿನ ಪ್ರಶ್ನೆ

ದಿನಾಂಕ : 26-03-2021 ಪ್ರಶ್ನೆ ಸಂಖ್ಯೆ : 311(2269)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 26-03-2021

ಉತ್ತರಿಸುವ ಸಚಿವರು: ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು

ವಿಷಯ : ವಿಶೇಷ ಮಕ್ಕಳ ಶಾಲಾ ಶಿಕ್ಷಕರು ಕಡಿಮೆ ವೇತನ ಹಾಗೂ ಇತರೆ ಸೌಲಭ್ಯಗಳಿಂದ ವಂಚಿತರಾಗಿರುವ ಬಗ್ಗೆ

(ಅ) ರಾಜ್ಯದಲ್ಲಿ ವಿಶೇಷ ಮಕ್ಕಳ ಶಾಲೆಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಶಿಕ್ಷಕರುಗಳು ಸಾಮಾನ್ಯ ಶಾಲಾ ಶಿಕ್ಷಕರುಗಳಿಗಿಂತ ಕಡಿಮೆ ವೇತನ ಹಾಗೂ ಇತರೆ ಸೌಲಭ್ಯಗಳಿಂದ ವಂಚಿತರಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಈ ಶಿಕ್ಷಕರ ವೇತನ, ಭತ್ಯೆ , ನಿವೃತ್ತಿ ವೇತನ ಹಾಗೂ ಇನ್ನಿತರ ಸೌಲಭ್ಯಗಳ ತಾರತಮ್ಯದ ನಿವಾರಣೆಗೆ ಸರ್ಕಾರ ಕೈಗೊಂಡ ಕ್ರಮಗಳೇನು;

(ಇ) ರಾಜ್ಯದಲ್ಲಿ ವಿಶೇಷ ಶಾಲೆಯ ಮಕ್ಕಳಿಗೆ ಪ್ರತಿ ತಿಂಗಳಿಗೆ ನೀಡುವ ಭತ್ಯೆಯನ್ನು ಹೆಚ್ಚಿಸುವ ಯೋಜನೆ ಸರ್ಕಾರದ ಮುಂದಿದೆಯೇ;

(ಈ) ರಾಜ್ಯದಲ್ಲಿರುವ ಒಟ್ಟು ಸರ್ಕಾರಿ ವಿಶೇಷ ಶಾಲೆಗಳ ಸಂಖ್ಯೆ ಹಾಗೂ ಕರ್ತವ್ಯ ನಿರ್ವಹಿಸುತ್ತಿರುವ ಬೋಧಕ/ಬೋಧಕೇತರ ಸಿಬ್ಬಂದಿಗಳ ಸಂಖ್ಯೆ ಎಷ್ಟು? (ಮಾಹಿತಿ ಒದಗಿಸುವುದು)